# ಕರ್ನಾಟಕ ವಿಧಾನಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 947
ವಿಧಾನ ಪರಿಷತ್ ಸದಸ್ಯರ ಹೆಸರು : ಶ್ರೀ ಅರವಿಂದ ಕುಮಾರ್ ಅರಳಿ (ವಿಧಾನಸಭೆಯಿಂದ ಚುನಾಯಿತರಾದವರು)
ಉತ್ತರಿಸುವವರು : ಮುಖ್ಯಮಂತ್ರಿಗಳು.
ಉತ್ತರಿಸಬೇಕಾದ ದಿನಾಂಕ : 12.03.2020

| ಕ್ರ.ಸಂ | ಪ್ರಶ್ನೆ | ಉತ್ತರ |
| --- | --- | --- |
| ಅ | ಬೀದರ್ ಜಿಲ್ಲೆಯಲ್ಲಿ ಸಣ್ಣ ಕೈಗಾರಿಕೆ ಅಭಿವೃದ್ಧಿಗಾಗಿ ಮತ್ತು ಅದರ ಆಕರ್ಷಣೆಗಾಗಿ ಯಾವುದಾದರೂ ಯೋಜನೆಗಳನ್ನು ಸರ್ಕಾರ ರೂಪಿಸಿದೆಯೇ? ಇದ್ದಲ್ಲಿ ಅವು ಯಾವುವು? ಇಲ್ಲವಾದಲ್ಲಿ ಅದಕ್ಕೆ ಪೂರಕ ಕಾರಣಗಳೇನು? | ಬೀದರ್ ಜಿಲ್ಲೆ ಒಳಗೊಂಡಂತೆ ರಾಜ್ಯದ ಎಲ್ಲಾ ಜಿಲ್ಲೆಗಳಲ್ಲಿ ಸಣ್ಣ ಕೈಗಾರಿಕೆ ಅಭಿವೃದ್ಧಿಗಾಗಿ ಮತ್ತು ಅದರ ಆಕರ್ಷಣೆಗಾಗಿ ರಾಜ್ಯ ಸರ್ಕಾರವು ಕೆಳಗಿನ ಯೋಜನೆಗಳನ್ನು ರೂಪಿಸಿದೆ:<br><br>1. **ಕೇಂದ್ರ ಸರ್ಕಾರದ ಪ್ರಧಾನಮಂತ್ರಿಗಳ ಉದ್ಯೋಗ ಸೃಜನ ಯೋಜನೆಯಡಿ** ನಗರ ಮತ್ತು ಗ್ರಾಮೀಣ ಪ್ರದೇಶಗಳಲ್ಲಿ ಕೈಗಾರಿಕೆಗಳನ್ನು ಸ್ಥಾಪಿಸಲು ಗರಿಷ್ಠ ಸಾಲ ರೂ. 25 ಲಕ್ಷಗಳವರೆಗೆ ಬ್ಯಾಂಕ್‌ಗಳ ಮೂಲಕ ಸಾಲ ಸೌಲಭ್ಯ ಒದಗಿಸಿ ಸಣ್ಣ ಉದ್ಯಮಗಳನ್ನು ಸ್ಥಾಪಿಸಿ ಸ್ವಯಂ ಉದ್ಯೋಗ ಕೈಗೊಳ್ಳಲು ಅನುಕೂಲ ಒದಗಿಸಲಾಗುವುದು ಹಾಗೂ ಯೋಜನಾ ವೆಚ್ಚದ ಮೇಲೆ ಶೇ. 15 ರಿಂದ ಶೇ.35 ರವರೆಗೆ ಗರಿಷ್ಠ ರೂ.3.75 ಲಕ್ಷದಿಂದ ರೂ.8.75 ಲಕ್ಷದವರೆಗೆ ಸಹಾಯಧನ ನೀಡಲಾಗುತ್ತಿದೆ.<br><br>2. ಕರ್ನಾಟಕ ರಾಜ್ಯ ಹಣಕಾಸು ಸಂಸ್ಥೆಯ ಮೂಲಕ ಮಹಿಳಾ ಉದ್ದಿಮೆದಾರರಿಗೆ ಶೇಕಡ 4ರ ಬಡ್ಡಿ ದರದಲ್ಲಿ ರೂ.2.00 ಕೋಟಿಯವರೆಗೂ ಸಾಲ ಸೌಲಭ್ಯ ಒದಗಿಸಲಾಗುತ್ತಿದೆ.<br><br>3. ಕರ್ನಾಟಕ ರಾಜ್ಯ ಹಣಕಾಸು ಸಂಸ್ಥೆಯ ಮೂಲಕ ಸೂಕ್ಷ್ಮ ಮತ್ತು ಸಣ್ಣ ಕೈಗಾರಿಕೆಗಳು ಸ್ಥಾಪಿಸಲು ರೂ.5.00 ಕೋಟಿಗಳವರೆಗೆ ಸಾಲ ಪಡೆದು ನಿಗದಿತ ಸಮಯದಲ್ಲಿ ಮರುಪಾವತಿ ಮಾಡಿದ ಅತಿ ಸಣ್ಣ ಮತ್ತು ಸಣ್ಣ ಕೈಗಾರಿಕಾ ಘಟಕಗಳಿಗೆ 5 ವರ್ಷಗಳ ಅವಧಿಗೆ ಶೇಕಡ 10ರಂತೆ ಬಡ್ಡಿ ಸಹಾಯಧನ ನೀಡಲಾಗುವುದು.<br><br>4. ಪರಿಶಿಷ್ಟ ಜಾತಿಯ ಮತ್ತು ಪರಿಶಿಷ್ಟ ಪಂಗಡದ ಉದ್ಯಮಶೀಲರಿಗೆ ವಿಶೇಷ ಘಟಕ ಉಪಯೋಜನೆ ಮತ್ತು ಗಿರಿಜನ ಉಪಯೋಜನೆಯಡಿಯಲ್ಲಿ ಶೇ 50 ರಿಯಾಯಿತಿ ದರದಲ್ಲಿ ಕೈಗಾರಿಕಾ ನಿವೇಶನಗಳನ್ನು (ಗರಿಷ್ಠ 2 ಎಕರೆ) ಮತ್ತು ಶೇ 90 ರಿಯಾಯಿತಿ ದರದಲ್ಲಿ ಕೈಗಾರಿಕಾ ಶೆಡ್‌ಗಳನ್ನು ನೀಡಲಾಗುತ್ತಿದೆ.<br><br>5. ಪರಿಶಿಷ್ಟ ಜಾತಿಯ ಮತ್ತು ಪರಿಶಿಷ್ಟ ಪಂಗಡದ ಉದ್ಯಮಶೀಲರಿಗೆ ವಿಶೇಷ ಘಟಕ ಉಪಯೋಜನೆ ಮತ್ತು ಗಿರಿಜನ ಉಪಯೋಜನೆಯಡಿಯಲ್ಲಿ ಸ್ವಯಂ ಉದ್ಯೋಗ ಕೈಗೊಳ್ಳಲು ಬ್ಯಾಂಕಿನಿಂದ ಸಾಲ ಒದಗಿಸಿ ಯೋಜನಾ ವೆಚ್ಚದ ಮೇಲೆ ಶೇ 60 ರಷ್ಟು ಗರಿಷ್ಠ ರೂ.5.00 ಲಕ್ಷ ಸಹಾಯಧನ ನೀಡಲಾಗುತ್ತಿದೆ.<br><br>6. ಪರಿಶಿಷ್ಟ ಜಾತಿಯ ಮತ್ತು ಪರಿಶಿಷ್ಟ ಪಂಗಡದ ಮೊದಲ ಪೀಳಿಗೆಯ ಉದ್ಯಮಿದಾರರು ಬ್ಯಾಂಕ್/ ಹಣಕಾಸು ಸಂಸ್ಥೆಗಳಿಂದ ಸಾಲ ಪಡೆದು ಸ್ಥಾಪಿಸುವ ಹೊಸ ಘಟಕಗಳಿಗೆ ಗರಿಷ್ಠ ರೂ.2.00 ಕೋಟಿ ಯೋಜನಾ ವೆಚ್ಚದಲ್ಲಿ The Debt Equity Ratio 2:1 ಪ್ರಕಾರ (2/3 ರಷ್ಟು ಬ್ಯಾಂಕ್/ ಹಣಕಾಸು ಸಂಸ್ಥೆಗಳಿಂದ ಸಾಲ ಮತ್ತು 1/3 ಪ್ರವರ್ತಕರ ಬಂಡವಾಳ) ಘಟಕಕ್ಕೆ ಪ್ರವರ್ತಕ ಬಂಡವಾಳ ಹೂಡಿಕೆಯ 1/3 ರಲ್ಲಿ ಶೇ.50 |

| | | |
|---|---|---|
| | | ರಷ್ಟು ಬಡ್ಡಿ ರಹಿತ ಗರಿಷ್ಟ ರೂ.33 ಲಕ್ಷ ಸಾಫ್ಟ್ ಸೀಡ್ ಕ್ಯಾಪಿಟಲ್ ಆರ್ಥಿಕ ಸಹಾಯ ನೀಡಲಾಗುತ್ತಿದೆ.<br><br>7. ದಿನಾಂಕ:01-04-2017 ರಿಂದ ಮೊದಲ ಬಾರಿಗೆ ಪರಿಶಿಷ್ಟ ಜಾತಿ / ಪರಿಶಿಷ್ಟ ಪಂಗಡದವರು ಸ್ಥಾಪಿಸುವ ಸಣ್ಣ ಮತ್ತು ಅತೀ ಸಣ್ಣ ಘಟಕಗಳು ಸಾಲ ಪಡೆಯುವ ಸಂದರ್ಭದಲ್ಲಿ ಕೆಎಸ್.ಎಫ್.ಸಿ ಮತ್ತು ಇತರೇ ಹಣಕಾಸು ಸಂಸ್ಥೆಯವರು ವಿಧಿಸಿರುವ ಪರಿಷ್ಕರಣಾ ಶುಲ್ಕ, ಕಾನೂನು ಶುಲ್ಕ, ಏಕಕಾಲಿಕ ಸಾಲ ವಿತರಣಾ ಶುಲ್ಕ ಮತ್ತು ಇತರೆ ಶುಲ್ಕಗಳನ್ನು ಭರಿಸಲಾಗುತ್ತಿದೆ.<br><br>8. ಪರಿಶಿಷ್ಟ ಜಾತಿ/ ಪರಿಶಿಷ್ಟ ಪಂಗಡದ ಉದ್ಯಮಗಳು ದಿನಾಂಕ: 01-04-2017 ರಿಂದ ಪ್ರಾರಂಭವಾಗಿರುವ ಹೊಸ ಸಣ್ಣ ಮತ್ತು ಅತೀ ಸಣ್ಣ ಕೈಗಾರಿಕಾ ಘಟಕಗಳಿಗೆ ಮೊದಲ 5 ವರ್ಷಗಳ ಅವಧಿಗೆ ಪ್ರತಿ ಯುನಿಟ್‌ಗೆ 2 ರೂ.ಗಳಷ್ಟು ವಿದ್ಯುಚ್ಛಕ್ತಿ ಸಹಾಯಧನ ನೀಡಲಾಗುತ್ತಿದೆ.<br><br>9. ಕರ್ನಾಟಕ ರಾಜ್ಯ ಕೈಗಾರಿಕಾ ನೀತಿ 2014-19ರಂತೆ ಕೆಳಕಾಣಿಸಿದ ಪ್ರೋತ್ಸಾಹ ಮತ್ತು ರಿಯಾಯಿತಿ ಸೌಲಭ್ಯಗಳನ್ನು ಅರ್ಹ ಕೈಗಾರಿಕೆಗಳಿಗೆ ನೀಡಿ ಉತ್ತೇಜಿಸಲಾಗುತ್ತಿದೆ.<br>1. ಮುದ್ರಾಂಕ ಶುಲ್ಕ ವಿನಾಯಿತಿ ಮತ್ತು ನೋಂದಣಿ ಶುಲ್ಕ ರಿಯಾಯಿತಿ.<br>2. ಬಂಡವಾಳ ಹೂಡಿಕೆ ಸಹಾಯಧನ<br>3. ಬಡ್ಡಿ ಸಹಾಯಧನ<br>4. ಭೂ ಪರಿವರ್ತನಾ ಶುಲ್ಕ ಮರುಪಾವತಿ.<br>5. ಪ್ರವೇಶ ತೆರಿಗೆ ವಿನಾಯಿತಿ.<br>6 ರಫ್ತು ಆದಾರಿತ ಘಟಕಗಳಿಗೆ ರಿಯಾಯಿತಿ.<br>7. ಕೃಷಿ ಉತ್ಪನ್ನ ಮಾರುಕಟ್ಟೆ ತೆರಿಗೆಯಿಂದ ವಿನಾಯಿತಿ.<br>8. ತ್ಯಾಜ್ಯ ಸಂಸ್ಕರಣಾ ಯಂತ್ರ ಸ್ಥಾಪನೆಗೆ ಸಹಾಯಧನ.<br>9. ವಿದ್ಯುತ್ ತೆರಿಗೆ ವಿನಾಯಿತಿ<br>10. ತಾಂತ್ರಿಕ ಉನ್ನತೀಕರಣ, ಗುಣಮಟ್ಟ ಪ್ರಮಾಣ ಪತ್ರ ಮತ್ತು ಪೇಟೆಂಟ್ ನೋಂದಣಿ ಸಹಾಯಧನ<br>11. ಮಳೆ ನೀರು ಕೊಯ್ಲು / ಸಂರಕ್ಷಣೆ ಸಹಾಯಧನ<br>12. ಶಕ್ತಿ ಸಂರಕ್ಷಣೆ ಸಹಾಯಧನ<br>13. ಯೋಜನಾ ವರದಿ ವೆಚ್ಚ ಮರುಪಾವತಿ<br><br>10. ಕರ್ನಾಟಕ ರಾಜ್ಯ ಕೃಷಿ ವಾಣಿಜ್ಯ ಮತ್ತು ಆಹಾರ ಸಂಸ್ಕರಣಾ ನೀತಿ 2015 ರಂತೆ ಕೆಳಕಾಣಿಸಿದ ಪ್ರೋತ್ಸಾಹ ಮತ್ತು ರಿಯಾಯಿತಿ ಸೌಲಭ್ಯಗಳನ್ನು ಅರ್ಹ ಕೈಗಾರಿಕೆಗಳಿಗೆ ನೀಡಿ ಉತ್ತೇಜಿಸಲಾಗುತ್ತಿದೆ.<br>1. ಮುದ್ರಾಂಕ ಶುಲ್ಕ ವಿನಾಯಿತಿ ಮತ್ತು ನೋಂದಣಿ ಶುಲ್ಕ ರಿಯಾಯಿತಿ.<br>2. ಬಂಡವಾಳ ಹೂಡಿಕೆ ಸಹಾಯಧನ<br>3. ಬಡ್ಡಿ ಸಹಾಯಧನ<br>4. ಭೂ ಪರಿವರ್ತನಾ ಶುಲ್ಕ ಮರುಪಾವತಿ.<br>5. ಪ್ರವೇಶ ತೆರಿಗೆ ವಿನಾಯಿತಿ.<br>6. ಕೃಷಿ ಉತ್ಪನ್ನ ಮಾರುಕಟ್ಟೆ ತೆರಿಗೆಯಿಂದ ವಿನಾಯಿತಿ.<br>7. ತ್ಯಾಜ್ಯ ಸಂಸ್ಕರಣಾ ಯಂತ್ರ ಸ್ಥಾಪನೆಗೆ ಸಹಾಯಧನ. |

**ಸಿಐ 22 ಸಪ್ರಕೈ 2020**

ಬಿ.ಎಸ್. ಯಡಿಯೂರಪ್ಪ

*(ಬಿ.ಎಸ್.ಯಡಿಯೂರಪ್ಪ)*

ಮುಖ್ಯಮಂತ್ರಿ